ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಸೋಮವಾರ, ದಿನಾಂಕ : 28 ನೇ ಸೆಪ್ಟೆಂಬರ್, 2020

ಕೋವಿಡ್-19 ರೋಗದ ಹಿನ್ನೆಲೆಯಲ್ಲಿ ಅತಿಥಿ ಉಪನ್ಯಾಸಕರುಗಳಿಗೆ ವಿಶೇಷ ಪ್ರೋತ್ಸಾಹಧನ ನೀಡುವ ಕುರಿತು

ಶ್ರೀ ನಿರಾಣಿ ಹಣವಂತ್ ರುದ್ರಪ್ಪ (ಪದವೀಧರರ ಕ್ಷೇತ್ರ):-

809 (902) ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಕೋವಿಡ್-19 ಸಾಂಕ್ರಾಮಿಕ ರೋಗದಿಂದಾಗಿ ಶಾಲಾ ಕಾಲೇಜುಗಳು ಪ್ರಾರಂಭವಾಗುವುದು ವಿಳಂಬವಾಗಿರುವುದರಿಂದ ಅತಿಥಿ ಉಪನ್ಯಾಸಕರಿಗೆ ವೇತನವಿಲ್ಲವೇ ತೊಂದರೆಯಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಬಂದಿದ್ದಲ್ಲಿ, ಸದರಿ ಅತಿಥಿ ಉಪನ್ಯಾಸಕರಿಗೆ ವಿಶೇಷ ಪ್ರೋತ್ಸಾಹ ಧನವನ್ನು ನೀಡಲು ಸರ್ಕಾರ ಯೋಜನೆ ಹಮ್ಮಿಕೊಳ್ಳುವುದೇ ;

(ಇ) ಎಷ್ಟು ಪ್ರೋತ್ಸಾಹ ಧನವನ್ನು ನೀಡಲು ಕ್ರಮ ಕೈಗೊಳ್ಳಲಾಗುವುದು;

(ಈ) ಶಾಲಾ ಕಾಲೇಜುಗಳು ಪ್ರಾರಂಭದ ನಂತರವೂ ಸಹ ಕೋವಿಡ್-19 ರಿಂದಾಗಿ ದಿನನಿತ್ಯ ಜೀವನ ನಡೆಸುವುದು ಕಷ್ಟವಾಗಿದ್ದು ಅತಿಥಿ ಉಪನ್ಯಾಸಕರಿಗೆ ನೀಡುತ್ತಿರುವ ಗೌರವಧನವನ್ನು ಹೆಚ್ಚಿಸಲಾಗುವುದೇ ;

(ಉ) ಹಾಗಾದಲ್ಲಿ, ಯಾವ ಪ್ರಮಾಣದಲ್ಲಿ ಹೆಚ್ಚಿಸಲಾಗುವುದು ?